# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಮೂರನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಸೋಮವಾರ, ದಿನಾಂಕ 11ನೇ ಫೆಬ್ರವರಿ, 2019

(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ

### 2. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವದ ಮೇಲೆ ಚರ್ಚೆ.

### 3. ವಿತ್ತೀಯ ಕಾರ್ಯಕಲಾಪಗಳು

2019–20ನೇ ಸಾಲಿನ ಆಯವ್ಯಯ ಅಂದಾಜುಗಳ ಮೇಲೆ ಸಾಮಾನ್ಯ ಚರ್ಚೆ.

### 4. ಶಾಸನ ರಚನೆ

#### I. ವಿಧೇಯಕಗಳನ್ನು ಮಂಡಿಸುವುದು

**1. ಶ್ರೀ ಆರ್.ವಿ. ದೇಶಪಾಂಡೆ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2019ನೇ ಸಾಲಿನ ಭೂ ಸ್ವಾಧೀನ, ಪುನರ್ವಸತಿ ಮತ್ತು ಪುನರ್ವ್ಯವಸ್ಥೆಯಲ್ಲಿ ನ್ಯಾಯಯುತ ಪರಿಹಾರ ಮತ್ತು ಪಾರದರ್ಶಕತೆ ಹಕ್ಕು (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**... 2/ ..**

**2. ಶ್ರೀ ಆರ್.ವಿ. ದೇಶಪಾಂಡೆ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2019ನೇ ಸಾಲಿನ ಬಸವಕಲ್ಯಾಣ ಅಭಿವೃದ್ಧಿ ಮಂಡಳಿ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**3. ಶ್ರೀ ಜಿ.ಟಿ. ದೇವೇಗೌಡ (ಮಾನ್ಯ ಉನ್ನತ ಶಿಕ್ಷಣ ಸಚಿವರು) ಅವರು:–**

ಅ) 2019ನೇ ಸಾಲಿನ ಎನ್‌ಐಇ ವಿಶ್ವವಿದ್ಯಾಲಯ ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## II. ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

**1. ಶ್ರೀ ಹೆಚ್.ಡಿ. ಕುಮಾರಸ್ವಾಮಿ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2018ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳ (ಶಿಕ್ಷಕರ ವರ್ಗಾವಣೆ ನಿಯಂತ್ರಣ) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2. ಶ್ರೀ ಆರ್.ವಿ. ದೇಶಪಾಂಡೆ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2019ನೇ ಸಾಲಿನ ಭೂ ಸ್ವಾಧೀನ, ಪುನರ್ವಸತಿ ಮತ್ತು ಪುನರ್ವ್ಯವಸ್ಥೆಯಲ್ಲಿ ನ್ಯಾಯಯುತ ಪರಿಹಾರ ಮತ್ತು ಪಾರದರ್ಶಕತೆ ಹಕ್ಕು (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**3. ಶ್ರೀ ಆರ್.ವಿ. ದೇಶಪಾಂಡೆ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2019ನೇ ಸಾಲಿನ ಬಸವಕಲ್ಯಾಣ ಅಭಿವೃದ್ಧಿ ಮಂಡಳಿ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**4. ಶ್ರೀ ಜಿ.ಟಿ. ದೇವೇಗೌಡ (ಮಾನ್ಯ ಉನ್ನತ ಶಿಕ್ಷಣ ಸಚಿವರು) ಅವರು:–**

ಅ) 2019ನೇ ಸಾಲಿನ ಎನ್‌ಐಇ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

... 3/ ..

**5. ಶ್ರೀ ಬಂಡೆಪ್ಪ ಖಾಶೆಂಪೂರ (ಮಾನ್ಯ ಸಹಕಾರ ಸಚಿವರು) ಅವರು:-**

ಅ) 2018ನೇ ಸಾಲಿನ ಕರ್ನಾಟಕ ಋಣ ಪರಿಹಾರ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**6. ಶ್ರೀ ಪ್ರಿಯಾಂಕ ಖರ್ಗೆ (ಮಾನ್ಯ ಸಮಾಜ ಕಲ್ಯಾಣ ಸಚಿವರು) ಅವರು:-**

ಅ) 2018ನೇ ಸಾಲಿನ ಕರ್ನಾಟಕ ಅನುಸೂಚಿತ ಜಾತಿಗಳು, ಅನುಸೂಚಿತ ಬುಡಕಟ್ಟುಗಳು ಮತ್ತು ಇತರ ಹಿಂದುಳಿದ ವರ್ಗಗಳ (ನೇಮಕಾತಿ ಮುಂತಾದವುಗಳ ಮೀಸಲಾತಿ) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಹೆಚ್. ಹಾಲಪ್ಪ, ವಿಶ್ವೇಶ್ವರ ಹೆಗಡೆ ಕಾಗೇರಿ, ಅರಗ ಜ್ಞಾನೇಂದ್ರ ಮತ್ತು ಎಸ್. ಕುಮಾರ ಬಂಗಾರಪ್ಪ ಇವರುಗಳು** – ಸಾಗರ ತಾಲ್ಲೂಕಿನ ಅರಳಗೋಡಿನಲ್ಲಿ ಕಾಣಿಸಿಕೊಂಡಿರುವ ಮಾರಣಾಂತಿಕ ಮಂಗನ ಕಾಯಿಲೆಯು ತಾಲ್ಲೂಕಿನಾದ್ಯಂತ ಹರಡುತ್ತಿದ್ದು ಅದನ್ನು ನಿಯಂತ್ರಿಸಲು ಅಗತ್ಯ ಕ್ರಮ ಕೈಗೊಳ್ಳುವ ಬಗ್ಗೆ ಚರ್ಚಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

2) **ಶ್ರೀಯುತರುಗಳಾದ ಜೆ.ಸಿ. ಮಾಧುಸ್ವಾಮಿ, ಎಸ್. ಕುಮಾರ ಬಂಗಾರಪ್ಪ, ಎಸ್. ಸುರೇಶ್ ಕುಮಾರ್ ಮತ್ತು ಎಸ್.ವಿ. ರಾಮಚಂದ್ರ ಇವರುಗಳು** – ರಾಜ್ಯ ಸರ್ಕಾರವು ವಿವಿಧ ಇಲಾಖೆಗಳು ಹಾಗೂ ಪಂಚಾಯಿತಿಗಳಿಗೆ ಅಂತರ್‌ಜಾಲದ ವ್ಯವಸ್ಥೆ ಅಳವಡಿಸುವ ಸಲುವಾಗಿ ತೊಡಗಿಸಿರುವ ಸುಮಾರು 800ಕ್ಕಿಂತ ಹೆಚ್ಚು ಕೋಟಿ ಸರ್ಕಾರಿ ಹಣವು ದುರುಪಯೋಗ ಆಗಿರುವ ವಿಷಯದ ಬಗ್ಗೆ ಚರ್ಚಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

3) **ಶ್ರೀಯುತರುಗಳಾದ ಎ.ಟಿ.ರಾಮಸ್ವಾಮಿ, ಕೆ.ಎಸ್.ಲಿಂಗೇಶ್ ಮತ್ತು ಡಿ.ಸಿ.ಗೌರಿಶಂಕರ್ ಇವರುಗಳು** – ಬೆಂಗಳೂರು ದಕ್ಷಿಣ ತಾಲ್ಲೂಕಿನ ಬಿ.ಎಂ.ಕಾವಲು ಗ್ರಾಮದ ಸರ್ವೆ ನಂ.137ರಲ್ಲಿರುವ 310 ಎಕರೆ 18 ಗುಂಟೆ ಸರ್ಕಾರಿ ಜಾಗ ಹಾಗೂ ಬೆಂಗಳೂರು ಉತ್ತರ ತಾಲ್ಲೂಕಿನ ಸಿದ್ಧಾಪುರ ಗ್ರಾಮದ ಸರ್ವೆ ನಂ.24ರಲ್ಲಿರುವ 4 ಎಕರೆ 18 ಗುಂಟೆ ಜಮೀನು ಮತ್ತು ಇತರೆ ಸರ್ಕಾರಿ ಜಮೀನುಗಳು ಖಾಸಗಿ ವ್ಯಕ್ತಿಗಳಿಗೆ ಸೃಷ್ಟಿತ ದಾಖಲೆಗಳ ಮೂಲಕ ಪರಭಾರೆಯಾಗುತ್ತಿರುವ ವಿಷಯದ ಬಗ್ಗೆ ಚರ್ಚಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

... 4/ ..

4) **ಶ್ರೀಯುತರುಗಳಾದ ದೇವಾನಂದ ಪುಲಸಿಂಗ್ ಚವ್ಹಾಣ್, ಕೆ.ಎಸ್.ಲಿಂಗೇಶ್ ಮತ್ತು ಎಂ.ಶ್ರೀನಿವಾಸ ಇವರುಗಳು** – ವಿಜಯಪುರ ಜಿಲ್ಲೆಯ ತಾಂಡಾ ಸೇರಿದಂತೆ ಇನ್ನಿತರ ಜನಾಂಗಗಳ ಜನರು ಜೀವನ ನಿರ್ವಹಣೆಗಾಗಿ ಹೊರ ರಾಜ್ಯಕ್ಕೆ ಗುಳೆ ಹೋಗುತ್ತಿರುವ ವಿಷಯದ ಬಗ್ಗೆ ಚರ್ಚಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 6. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಎಸ್. ಕುಮಾರ ಬಂಗಾರಪ್ಪ ಅವರು** – ಗ್ರಾಮ ಪಂಚಾಯಿತಿಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಗ್ರಾಮ ಪಂಚಾಯಿತಿ ಅಭಿವೃದ್ಧಿ ಅಧಿಕಾರಿಗಳು ತಮಗೆ ವಹಿಸಿರುವ ಕೆಲಸ ಕಾರ್ಯಗಳನ್ನು ಯಶಸ್ವಿಯಾಗಿ ನಿರ್ವಹಿಸಲು ಅನುಕೂಲವಾಗುವಂತೆ ಗ್ರಾಮ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳನ್ನು ಗ್ರೂಪ್ 'ಬಿ' (ಗೆಜೆಟೆಡ್) ವೃಂದಕ್ಕೆ ಸೇರ್ಪಡೆ ಮಾಡುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

2) **ಶ್ರೀ ಅರವಿಂದ ಚಂದ್ರಕಾಂತ ಬೆಲ್ಲದ ಅವರು** – ರಾಜ್ಯದ ಸರ್ಕಾರಿ ಪ್ರಾಥಮಿಕ ಹಾಗೂ ಪ್ರೌಢಶಾಲೆಗಳಲ್ಲಿ ವ್ಯಾಸಂಗ ಮಾಡುತ್ತಿರುವ ವಿದ್ಯಾರ್ಥಿಗಳು ಕ್ರೀಡಾ ಕ್ಷೇತ್ರಗಳಲ್ಲಿ ಆಸಕ್ತಿ ಬೆಳೆಸಿಕೊಳ್ಳಲು ಅನುಕೂಲವಾಗುವಂತೆ ಹಾಗೂ ಅಂತರಾಷ್ಟ್ರೀಯ ಮಟ್ಟದ ಕ್ರೀಡಾಪಟುಗಳನ್ನು ತಯಾರು ಮಾಡುವ ನಿಟ್ಟಿನಲ್ಲಿ ಎನ್.ಎಸ್.ಎ. (ನ್ಯಾಷನಲ್ ಸ್ಪೋರ್ಟ್ಸ್ ಅಕಾಡೆಮಿ) ತರಬೇತಿದಾರರನ್ನು ಎಲ್ಲಾ ಆಟದ ಮೈದಾನಗಳಲ್ಲಿ ನೇಮಕ ಮಾಡುವ ಬಗ್ಗೆ ಮಾನ್ಯ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರ ಗಮನ ಸೆಳೆಯುವುದು.

3) **ಶ್ರೀ ನಿಸರ್ಗ ನಾರಾಯಣಸ್ವಾಮಿ ಎಲ್.ಎನ್. ಅವರು** – ಕೆಂಪೇಗೌಡ ಅಂತರರಾಷ್ಟ್ರೀಯ ವಿಮಾನ ನಿಲ್ದಾಣದ ನಿರ್ಮಾಣಕ್ಕಾಗಿ ಜಮೀನುಗಳನ್ನು ಕಳೆದುಕೊಂಡ ರೈತರುಗಳಿಗೆ ದೇವನಹಳ್ಳಿ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಸರ್ಕಾರಿ ಜಮೀನುಗಳನ್ನು ಗುರುತಿಸಿ ನಿವೇಶನಗಳನ್ನು ಹಂಚಿಕೆ ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

4) **ಶ್ರೀ ಅಬ್ಬಯ್ಯ ಪ್ರಸಾದ್ ಅವರು** – ಧಾರವಾಡ ಜಿಲ್ಲೆಯ ವ್ಯಾಪ್ತಿಯಲ್ಲಿ ಬರುವ ತಹಸೀಲ್ದಾರ್ ಕಛೇರಿಗಳಲ್ಲಿ ವಿಧವಾ ವೇತನ, ವೃದ್ಧಾಪ್ಯ ವೇತನ, ವಿಕಲಚೇತನ ಪಿಂಚಣಿ ಹಾಗೂ ಜಾತಿ ಮತ್ತು ಆದಾಯ ಪ್ರಮಾಣ ಪತ್ರಗಳ ವಿತರಣೆಯಲ್ಲಿ ಸಾರ್ವಜನಿಕರಿಗೆ ಆಗುತ್ತಿರುವ ತೊಂದರೆಗಳ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

**ಎಂ.ಕೆ.ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು**
***http://kla.kar.nic.in/assembly/lob/lob.htm***